ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 09ನೇ ಮಾರ್ಚ್, 2020

ಗ್ರಾಮೀಣಾ ಪ್ರದೇಶದ ಯುವಕರ ವಲಸೆ ತಡೆಗಟ್ಟುವುದು

ಶ್ರೀ ಎಸ್.ಎಲ್. ಭೋಜೇಗೌಡ (ಶಿಕ್ಷಕರ ಕ್ಷೇತ್ರ)

391 (506) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಐಟಿ-ಬಿಟಿ ಕಂಪನಿಗಳು ಕೇವಲ ನಗರಗಳಲ್ಲಿ ಸ್ಥಾಪನೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಗ್ರಾಮೀಣ ಭಾಗಗಳಲ್ಲಿ ಕಂಪನಿಗಳನ್ನು ಸ್ಥಾಪಿಸಲು ಸರ್ಕಾರದಿಂದ ಯಾವ ರೀತಿ ಉತ್ತೇಜನ ನೀಡಲಾಗುತ್ತಿದೆ ;

(ಇ) ಗ್ರಾಮೀಣ ಭಾಗದ ಯುವಕರು ನಗರ ಪ್ರದೇಶಕ್ಕೆ ವಲಸೆ ಬಂದಿರುವ ಬಗ್ಗೆ ಸರ್ಕಾರದ ಬಳಿ ಅಂಕಿ ಅಂಶಗಳು ಇವೆಯೇ ; (ವಿವರ ನೀಡುವುದು)

(ಈ) ಗ್ರಾಮೀಣ ಭಾಗದ ಯುವಕರು ನಗರ ಪ್ರದೇಶಗಳಿಗೆ ವಲಸೆ ಬಾರದಂತೆ ತಡೆಯಲು ಯಾವ ಕ್ರಮ ಕೈಗೊಳ್ಳಲಾಗಿದೆ ?